# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹನ್ನೆರಡನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 17ನೇ ಫೆಬ್ರವರಿ, 2022

(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಸಂತಾಪ ಸೂಚನೆ

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

### 3. ಶಾಸನ ರಚನೆ

**ವಿಧೇಯಕವನ್ನು ಮಂಡಿಸುವುದು**

**ಶ್ರೀ ಆರ್. ಅಶೋಕ್ (ಮಾನ್ಯ ಕಂದಾಯ ಸಚಿವರು) ಅವರು:-**

ಅ) 2022ನೇ ಸಾಲಿನ ಕರ್ನಾಟಕ ಸ್ಟಾಂಪು (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### 4. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

ದಿನಾಂಕ 15ನೇ ಫೆಬ್ರವರಿ, 2022ರಂದು ಶ್ರೀ ಪಿ. ರಾಜೀವ್ ರವರು ಸೂಚಿಸಿ, ಶ್ರೀ ಎಸ್. ಕುಮಾರ್ ಬಂಗಾರಪ್ಪ ರವರು ಅನುಮೋದಿಸಿದ ಕೆಳಕಂಡ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ (ಎರಡನೇ ದಿನ).

"ದಿನಾಂಕ 14ನೇ ಫೆಬ್ರವರಿ, 2022 ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರುಗಳನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರವರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ".

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

**ಶ್ರೀ ಎ.ಟಿ. ರಾಮಸ್ವಾಮಿ ಅವರು** – ಬೆಂಗಳೂರು ನಗರ ಜಿಲ್ಲೆ ಬೇಗೂರು ಹೋಬಳಿ ಹುಳಿಮಾವು ಗ್ರಾಮದಲ್ಲಿ ಸರ್ಕಾರಿ ಭೂಮಿಯ ಹಕ್ಕು ದಾಖಲೆಗಳನ್ನು ಅಕ್ರಮವಾಗಿ ಖಾಸಗಿ ವ್ಯಕ್ತಿಯ ಹೆಸರುಗಳಿಗೆ ದಾಖಲೆ ಮಾಡಿರುವ ಅಧಿಕಾರಿಗಳ ವಿರುದ್ಧ ಶಿಸ್ತು ಕ್ರಮ ಕೈಗೊಳ್ಳುವ ಬಗ್ಗೆ ಹಾಗೂ ಇದೇ ರೀತಿ ರಾಜ್ಯದಲ್ಲಿ ಹಲವಾರು ಪ್ರಕರಣಗಳಲ್ಲಿ ಸರ್ಕಾರದ ಆಸ್ತಿ ಲೂಟಿಯಾಗುತ್ತಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 6. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಕೆ.ಜಿ. ಬೋಪಯ್ಯ ಅವರು** – ಅಕ್ರಮ–ಸಕ್ರಮ ಯೋಜನೆಯಡಿ ರೈತರಿಗೆ ಅರ್ಜಿ ಸಲ್ಲಿಸಲು ನೀಡಲಾಗಿದ್ದ ಕಾಲಾವಕಾಶವನ್ನು ಕೋವಿಡ್ ಹಿನ್ನೆಲೆಯಲ್ಲಿ ವಿಸ್ತರಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

2) **ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ ಅವರು** – ಬೆಂಗಳೂರು ಗ್ರಾಮಾಂತರ ಹಾಗೂ ಚಿಕ್ಕಬಳ್ಳಾಪುರ ಜಿಲ್ಲೆಗಳಿಗೆ ರೂಪಿಸಿರುವ ಹೆಚ್.ಎನ್. ವ್ಯಾಲಿ ಕೆರೆ ನೀರು ತುಂಬಿಸುವ ಯೋಜನೆಯು ಕುಂಠಿತವಾಗಿರುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಹಾಗೂ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಸಚಿವರ ಗಮನ ಸೆಳೆಯುವುದು.

3) **ಶ್ರೀ ಹೆಚ್.ಕೆ. ಪಾಟೀಲ್ ಅವರು** – ಗದಗ–ಬೆಟಗೇರಿ ವ್ಯಾಪ್ತಿಯಲ್ಲಿ ಹಿಂದುಳಿದ ಅಲೆಮಾರಿ ಜನಾಂಗ ವಾಸಿಸುತ್ತಿರುವ ಪ್ರದೇಶಗಳಲ್ಲಿ ಗ್ರಂಥಾಲಯ ಸ್ಥಾಪಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

4) **ಶ್ರೀಮತಿ ಸೌಮ್ಯ ರೆಡ್ಡಿ ಅವರು** – ರೈತರ ಆದಾಯ ದ್ವಿಗುಣಗೊಳಿಸಲು ರಾಜ್ಯದಲ್ಲಿ ಸ್ಥಾಪಿಸಲು ಉದ್ದೇಶಿಸಿರುವ 2ನೇ ಕೃಷಿ ನಿರ್ದೇಶನಾಲಯದ ಪ್ರಸ್ತುತ ಹಂತದ ಬಗ್ಗೆ ಮಾನ್ಯ ಕೃಷಿ ಸಚಿವರ ಗಮನ ಸೆಳೆಯುವುದು.

5) **ಶ್ರೀಮತಿ ಕನೀಜ್ ಫಾತಿಮಾ ಅವರು** – ಕಲಬುರಗಿ ನಗರದ ವಿಶ್ವವಿದ್ಯಾಲಯ ಪೊಲೀಸ್ ಠಾಣೆ ವ್ಯಾಪ್ತಿಯಲ್ಲಿ ನಾಪತ್ತೆಯಾಗಿದ್ದ ಎರಡೂವರೆ ವರ್ಷದ ಗಂಡು ಮಗು ನಿಗೂಢ ರೀತಿಯಲ್ಲಿ ಸಾವನ್ನಪ್ಪಿರುವ ಪ್ರಕರಣಕ್ಕೆ ಸಂಬಂಧಿಸಿದಂತೆ ತಪ್ಪಿತಸ್ಥರನ್ನು ಪತ್ತೆ ಹಚ್ಚಿ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

6) **ಶ್ರೀ ಎಂ.ಪಿ. ಕುಮಾರಸ್ವಾಮಿ ಅವರು** – ರಾಜ್ಯದಲ್ಲಿರುವ ಖಾಸಗಿ ಕಾಲೇಜುಗಳಲ್ಲಿ ಮ್ಯಾನೇಜ್‌ಮೆಂಟ್ ಕೋಟಾದಡಿ ವಿವಿಧ ಕೋರ್ಸ್‌ಗಳಿಗೆ ಪ್ರವೇಶ ಪಡೆಯುವ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡದ ವಿದ್ಯಾರ್ಥಿಗಳಿಗೆ ವಿದ್ಯಾರ್ಥಿ ವೇತನ ಹಾಗೂ ಸರ್ಕಾರಿ ವಸತಿ ನಿಲಯಗಳಲ್ಲಿ ವಾಸ್ತವ್ಯಕ್ಕೆ ಅನುಕೂಲ ಕಲ್ಪಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

..3/

7) **ಶ್ರೀ ಅಮರೇಗೌಡ ಲಿಂಗನಗೌಡ ಪಾಟೀಲ್ ಬಯ್ಯಾಪುರ್ ಅವರು** – ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಇಲಾಖೆಯ ವ್ಯಾಪ್ತಿಯಲ್ಲಿ ಬರುವ 1 ರಿಂದ 8ನೇ ತರಗತಿಯವರೆಗಿನ ಪದವೀಧರ ಶಿಕ್ಷಕರ ಹುದ್ದೆಗಳನ್ನು ಜೇಷ್ಠತೆ ಮತ್ತು ರೋಸ್ಟರ್ ಆಧಾರದ ಮೇಲೆ ಭರ್ತಿ ಮಾಡಲು ಹಾಗೂ 6 ತಿಂಗಳಿಗೊಮ್ಮೆ ಟಿ.ಇ.ಟಿ. ಸ್ಪರ್ಧಾತ್ಮಕ ಪರೀಕ್ಷೆಗಳನ್ನು ನಡೆಸಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

8) **ಶ್ರೀ ಲಾಲಾಜಿ ಆರ್. ಮೆಂಡನ್ ಅವರು** – ಕಾಪು ವಿಧಾನಸಭಾ ಕ್ಷೇತ್ರದ ಪಡುಬಿದ್ರಿ ಗ್ರಾಮದಲ್ಲಿ ಸುಝಲಾನ್ ಸಂಸ್ಥೆಯ ಅನುಪಯುಕ್ತ ಜಾಗವನ್ನು ಕಸ ವಿಲೇವಾರಿ ಮಾಡಲು ಪಡುಬಿದ್ರಿ ಗ್ರಾಮ ಪಂಚಾಯತ್‌ಗೆ ಹಸ್ತಾಂತರಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

9) **ಶ್ರೀ ಬಸವನಗೌಡ ದದ್ದಲ ಅವರು** – ರಾಯಚೂರು ವಿಶ್ವವಿದ್ಯಾಲಯಕ್ಕೆ ಮೂಲಭೂತ ಸೌಕರ್ಯ ಒದಗಿಸಲು ಹಾಗೂ ಬೋಧಕ/ಬೋಧಕೇತರ ಹುದ್ದೆಗಳನ್ನು ಭರ್ತಿ ಮಾಡುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

10) **ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು** – ಹಾಸನ ರಾಷ್ಟ್ರೀಯ ಹೆದ್ದಾರಿಯಲ್ಲಿ ದೇವಿಹಳ್ಳಿಯಿಂದ ಮಾರನಹಳ್ಳಿಯವರೆಗೆ ಪುನರ್ ನಿರ್ಮಾಣಗೊಳ್ಳುತ್ತಿರುವ ಹೆದ್ದಾರಿ ಕಾಮಗಾರಿಯು ಕಳಪೆ ಮತ್ತು ತೀವ್ರ ನಿಧಾನಗತಿಯಲ್ಲಿ ಸಾಗುತ್ತಿದ್ದರೂ ಸಕಲೇಶಪುರದಿಂದ ಮಂಗಳೂರಿನವರೆಗೆ ಹೆದ್ದಾರಿ ಬಂದ್ ಮಾಡಿ ಕಾಮಗಾರಿ ಮುಂದುವರೆಸಲು ಚಿಂತನೆ ನಡೆಸುತ್ತಿದ್ದು, ಇದರಿಂದಾಗಿ ಜನಸಾಮಾನ್ಯರಿಗೆ ಮತ್ತು ವ್ಯಾಪಾರಸ್ಥರಿಗೆ ತೊಂದರೆ ಉಂಟಾಗುವ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

11) **ಶ್ರೀ ಪಿ. ರಾಜೀವ್ ಅವರು** – ಬೆಳಗಾವಿ ಜಿಲ್ಲೆಯ ರಾಯಭಾಗ ತಾಲ್ಲೂಕಿನ ಸಿದ್ದಾಪುರ ಗ್ರಾಮದಲ್ಲಿ ಪರಿಶಿಷ್ಟ ಜಾತಿ ಜನರ ಸ್ಮಶಾನಕ್ಕೆ ಖಾಸಗಿಯವರಿಂದ ಜಮೀನು ಖರೀದಿಸಲು ವಿಳಂಬವಾಗುತ್ತಿರುವುದರಿಂದ ಪರಿಶಿಷ್ಟ ಜಾತಿಯ ಜನರಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು
***http://kla.kar.nic.in/assembly/lob/lob.htm***